ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ಸರ್ಕಾರಿ ಪ್ರಾಥಮಿಕ ಹಾಗೂ ಪ್ರೌಢ ಶಾಲೆಗಳಲ್ಲಿ ಕೊರತೆ ಇರುವ ಶಿಕ್ಷಕರ ನೇಮಕಾತಿ ಮಾಡುವ ಬಗ್ಗೆ

ಶ್ರೀ ವಿವೇಕ್‌ರಾವ್ ವಸಂತರಾವ್ ಪಾಟೀಲ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

1028 (1204) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಮತ್ತು ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದಲ್ಲಿ ಸರ್ಕಾರಿ ಪ್ರಾಥಮಿಕ ಹಾಗೂ ಪ್ರೌಢ ಶಾಲೆಗಳಲ್ಲಿ ಶಿಕ್ಷಕರ ಕೊರತೆಯಿಂದಾಗಿ ಶಾಲಾ ಮಕ್ಕಳ ಶೈಕ್ಷಣಿಕ ಗುಣಮಟ್ಟ ಕಡಿಮೆ ಆಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಈ ಕುರಿತು ಸರ್ಕಾರವು ಕೈಗೊಂಡ ಕ್ರಮಗಳೇನು ;

(ಆ) ಸರ್ಕಾರಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳಿಗೆ ಅಗತ್ಯ ಶಾಲಾ ಶಿಕ್ಷಕರ ನೇಮಕಾತಿ ಮಾಡಲು ಸರ್ಕಾರವು ಕ್ರಮಗೊಳ್ಳುವುದೇ ; ಇದಕ್ಕೆ ಬೇಕಾಗುವ ಕಾಲಾವಧಿ ಎಷ್ಟು ?